

# ಕರ್ನಾಟಕ ವಿಧಾನ ಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

## ಚುಕ್ಕೆ ಗುರುತಿನ ಪ್ರಶ್ನೆ

ದಿನಾಂಕ : 12-03-2021 ಪ್ರಶ್ನೆ ಸಂಖ್ಯೆ : 158 (1064)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಕೆ.ಟಿ. ಶ್ರೀಕಂಠೇಗೌಡ (ಪದವೀಧರರ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 12-03-2021

ಉತ್ತರಿಸುವ ಸಚಿವರು : ಉಪ ಮುಖ್ಯಮಂತ್ರಿಗಳು ಹಾಗೂ ಸಾರಿಗೆ ಸಚಿವರು

ವಿಷಯ : ರಸ್ತೆಯಲ್ಲಿ ಹಳೆಯ ವಾಹನಗಳ ಸಂಚಾರವನ್ನು ತಡೆಯುವ ಬಗ್ಗೆ

(ಅ) ರಾಜ್ಯದಲ್ಲಿ ಸುಸ್ಥಿತಿಯಲ್ಲಿಲ್ಲದ ವಾಹನಗಳು (ಆಟೋ, ಲಾರಿ, ಬಸ್, ಟೆಂಪೋ) ರಸ್ತೆಯಲ್ಲಿ ಸಂಚರಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಈ ವಾಹನಗಳ ಸಂಚಾರದಿಂದ ಅಪಘಾತಗಳು ಹೆಚ್ಚಾಗಿ ಅಮಾಯಕರು ಬಲಿಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಇ) ಈ ವಾಹನಗಳು ಮಾಲೀಕರುಗಳು ಆರ್.ಟಿ.ಓ. ಕಛೇರಿಯಲ್ಲಿ ಲಂಚ ನೀಡಿ ಎಫ್.ಸಿ. ಪಡೆದು ರಸ್ತೆಯಲ್ಲಿ ಸಂಚರಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಈ) ಬಂದಿದ್ದಲ್ಲಿ, ಹಳೆಯ ವಾಹನಗಳಿಗೆ ಕಾಲಮಿತಿಯನ್ನು ನಿಗದಿಪಡಿಸಿ ಇಂತಹ ವಾಹನಗಳ ಪರವಾನಿಗೆ ರದ್ದುಪಡಿಸಲು ಸರ್ಕಾರ ಕಟ್ಟುನಿಟ್ಟಿನ ಕ್ರಮ ಕೈಗೊಳ್ಳುವುದೇ?